ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಸೋಮವಾರ, ದಿನಾಂಕ : 21 ನೇ ಸೆಪ್ಟೆಂಬರ್, 2020

ಕೊಡಗು ಜಿಲ್ಲೆಯಲ್ಲಿ ರೋಗಿಗಳಿಗೆ ಡಯಾಲಿಸಿಸ್ ಸೇವೆ ಸರಿಯಾಗಿ ದೊರೆಯದಿರುವ ಕುರಿತು

ಶ್ರೀಮತಿ ಎಸ್. ವೀಣಾ ಅಚ್ಚಯ್ಯ(ವಿಧಾನಸಭೆಯಿಂದ ಚುನಾಯಿತರಾದವರು) –

114 (134) ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ –

(ಅ) ಕೊಡಗು ಜಿಲ್ಲೆಯಲ್ಲಿ ಡಯಾಲಿಸಿಸ್ ಕೇಂದ್ರಗಳನ್ನು ತೆರೆಯಲಾಗಿದೆಯೇ;

(ಆ) ಇದ್ದಲ್ಲಿ, ಪ್ರಸ್ತುತ ಕಾರ್ಯನಿರ್ವಹಿಸುತ್ತಿರುವ ಕೇಂದ್ರಗಳ ಸಂಖ್ಯೆ ಎಷ್ಟು; ಮತ್ತು ಅವು ಯಾವುವು;

(ಇ) ಸದರಿ ಕೇಂದ್ರಗಳು ಪ್ರತಿದಿನ ಎಷ್ಟು ರೋಗಿಗಳಿಗೆ ಸೇವೆ ನೀಡುವ ಸಾಮರ್ಥ್ಯ ಹೊಂದಿವೆ; ಹಾಗೂ ಸದರಿ ಕೇಂದ್ರಗಳಲ್ಲಿ ಕಳೆದ ಮೂರು ತಿಂಗಳಲ್ಲಿ ಸೇವೆ ಪಡೆದ ರೋಗಿಗಳ ಸಂಖ್ಯೆ ಎಷ್ಟು; (ಪ್ರತಿದಿನದ ವಿವರ ನೀಡುವುದು)

(ಈ) ಸದರಿ ಕೇಂದ್ರಗಳಲ್ಲಿ ಇರಬೇಕಾದ ಮೂಲ ಸೌಕರ್ಯಗಳೇನು ಹಾಗೂ ಕರ್ತವ್ಯ ನಿರ್ವಹಿಸಬೇಕಾದ ವೈದ್ಯ ಹಾಗೂ ಇತರ ಸಿಬ್ಬಂದಿಗಳ ಸಂಖ್ಯೆ ಎಷ್ಟು; ಆ ಪ್ರಮಾಣದಲ್ಲಿ ವೈದ್ಯರನ್ನು ನಿಯೋಜಿಸಲಾಗಿದೆಯೇ?